


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## **ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 1586 (1866)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಪಿ.ಆರ್. ರಮೇಶ್ (ನಾಮನಿರ್ದೇಶನ ಹೊಂದಿದವರು)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ಬೆಂಗಳೂರು ನಗರದ ವ್ಯಾಪ್ತಿಯಲ್ಲಿ ಅರಣ್ಯ ಭೂಮಿ ಒತ್ತುವರಿ ಕುರಿತು

(ಅ) ಬೆಂಗಳೂರು ನಗರದ ಸುತ್ತಮುತ್ತ ಇರುವ ಅರಣ್ಯ ಪ್ರದೇಶದಲ್ಲಿ ಬಹಳಷ್ಟು ಅರಣ್ಯ ಭೂಮಿಯನ್ನು ಖಾಸಗಿಯವರು ಒತ್ತುವರಿ ಮಾಡಿಕೊಂಡು ಅನಧಿಕೃತ/ಅಧಿಕೃತ ಬಡಾವಣೆಗಳನ್ನು ನಿರ್ಮಾಣ ಮಾಡಿರುವ ಒಟ್ಟು ಎಷ್ಟು ಪ್ರಕರಣಗಳು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರ ಎಷ್ಟು ಪ್ರಕರಣಗಳನ್ನು ಪತ್ತೆ ಹಚ್ಚಿ ಒತ್ತುವರಿ ಭೂಮಿಯನ್ನು ಸ್ವಾಧೀನಪಡಿಸಿಕೊಂಡಿದೆ; (ವಿವರ ನೀಡುವುದು)

(ಆ) ಕೆಂಗೇರಿ ಹೋಬಳಿ ತುರಹಳ್ಳಿ ರಾಜ್ಯ ಅರಣ್ಯ ಪ್ರದೇಶ ಮೈಲಸಂದ್ರ ಗ್ರಾಮ, ಸರ್ವೆ ನಂ.26ರಲ್ಲಿ ಸುಮಾರು 2 ಎಕರೆ 20 ಗುಂಟೆ ಪ್ರದೇಶವನ್ನು ಖಾಸಗಿಯವರು ಒತ್ತುವರಿ ಮಾಡಿಕೊಂಡಿರುವ ಪ್ರಕರಣದ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ಕ್ರಮವೇನು ; (ವಿವರ ನೀಡುವುದು)

(ಇ) ಬೆಂಗಳೂರು ದಕ್ಷಿಣ ತಾಲ್ಲೂಕಿನ ಕಗ್ಗಲೀಪುರ ಪ್ರಾದೇಶಿಕ ವಲಯದ ವ್ಯಾಪ್ತಿಯಲ್ಲಿ ಇರುವ ನೆಟ್ಟಿಗೆರೆ ಸರ್ವೆ ನಂ. 42 ರಲ್ಲಿ 1.09 ಎಕರೆ ಅರಣ್ಯ ಪ್ರದೇಶವನ್ನು ಖಾಸಗಿಯವರು ಒತ್ತುವರಿ ಮಾಡಿಕೊಂಡಿರುವ ವಿಷಯ ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸರ್ಕಾರದ ಕ್ರಮವೇನು ; (ವಿವರ ನೀಡುವುದು)

(ಈ) ಹಲವು ಪ್ರಕರಣಗಳಲ್ಲಿ ಖಾಸಗಿಯವರ ಜೊತೆಗೆ ಅರಣ್ಯ ಇಲಾಖೆಯ ಅಧಿಕಾರಿಗಳು ಶಾಮೀಲಾಗಿ ಸಾರ್ವಜನಿಕ ಅರಣ್ಯ ಪ್ರದೇಶದ ಆಸ್ತಿಯನ್ನು ಒತ್ತುವರಿ ಮಾಡಲು ಕುಮ್ಮಕ್ಕು ನೀಡಿರುವ ಕುರಿತಂತೆ ಸರ್ಕಾರಕ್ಕೆ ಬಂದಂತಹ ದೂರುಗಳ ಸಂಖ್ಯೆ ಎಷ್ಟು; ಈ ಕುರಿತು ಸರ್ಕಾರದ ಕ್ರಮವೇನು ? (ವಿವರ ನೀಡುವುದು)